# ಕರ್ನಾಟಕ ವಿಧಾನ ಪರಿಷತ್ತು

| | | |
|---|---|---|
| ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ | : | 678 |
| ಸದಸ್ಯರ ಹೆಸರು | : | ಶ್ರೀ ಕವಟಗಿಮಠ ಮಹಾಂತೇಶ ಮಲ್ಲಿಕಾರ್ಜುನ |
| ಉತ್ತರಿಸುವ ದಿನಾಂಕ | : | 17.09.2021. |
| ಉತ್ತರಿಸುವ ಸಚಿವರು | : | ಸಮಾಜ ಕಲ್ಯಾಣ ಹಾಗೂ ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು. |

| ಕ್ರ. ಸಂ. | ಪ್ರಶ್ನೆ | ಉತ್ತರ |
|---|---|---|
| ಅ) | ರಾಜ್ಯದಲ್ಲಿ ಅನುಸೂಚಿತ ಜಾತಿ ಹಾಗೂ ಅನುಸೂಚಿತ ಪಂಗಡದ ಜನಾಂಗದವರ ಕಲ್ಯಾಣಕ್ಕಾಗಿ ಇರುವ ಯೋಜನೆಯನ್ನು ಯಾವಾಗ ಆರಂಭಿಸಲಾಯಿತು; | ರಾಜ್ಯದಲ್ಲಿ ಸಮಾಜ ಕಲ್ಯಾಣ ಇಲಾಖೆಯು ಪ್ರಾರಂಭವಾದಾಗಿನಿಂದ ಪರಿಶಿಷ್ಟ ಜಾತಿ ಹಾಗೂ ಪರಿಶಿಷ್ಟ ಪಂಗಡದವರ ಕಲ್ಯಾಣಕ್ಕಾಗಿ ಯೋಜನೆಗಳನ್ನು ಅನುಷ್ಠಾನ ಮಾಡಲಾಗುತ್ತಿದೆ. |
| ಆ) | ಈ ಕಾರ್ಯಕ್ರಮಗಳ ಅನುಷ್ಠಾನಕ್ಕೆ ಇರುವ ಮಾನದಂಡಗಳೇನು; | ಎಸ್.ಸಿ.ಎಸ್.ಪಿ/ಟಿ.ಎಸ್.ಪಿ ಕಾರ್ಯಕ್ರಮಗಳನ್ನು ಅನುಷ್ಠಾನ ಮಾಡುವ ಇಲಾಖೆಗಳು ಪರಿಶಿಷ್ಟ ಜಾತಿ/ಪರಿಶಿಷ್ಟ ಪಂಗಡದವರ ಜನಸಂಖ್ಯೆಗೆ ಅನುಗುಣವಾಗಿ ಅನುದಾನ ಹಂಚಿಕೆ ಮಾಡಿ, ಕಾರ್ಯಕ್ರಮಗಳನ್ನು ಅನುಷ್ಠಾನಗೊಳಿಸಬೇಕು. |
| ಇ) | ಕರ್ನಾಟಕದಲ್ಲಿ ಯಾವ ವರ್ಷದಿಂದ ಎಸ್.ಸಿ.ಪಿ/ಟಿ.ಎಸ್.ಪಿ ಯೋಜನೆ ಜಾರಿಗೆ ತರಲಾಯಿತು; ಕಳೆದ ನಾಲ್ಕು ವರ್ಷಗಳ ಅವಧಿಯಲ್ಲಿ ವಿವಿಧ ಯೋಜನೆಗಳ ಅಭಿವೃದ್ಧಿ ಕಾರ್ಯಗಳಿಗಾಗಿ ಹಂಚಿಕೆ ಮಾಡಲಾದ ಅನುದಾನವೆಷ್ಟು; (ವಿವರ ಒದಗಿಸುವುದು) | ರಾಜ್ಯದಲ್ಲಿ 2014-15ನೇ ಸಾಲಿನಿಂದ ಎಸ್.ಸಿ.ಎಸ್.ಪಿ /ಟಿ.ಎಸ್.ಪಿ ಯೋಜನೆ ಜಾರಿಗೆ ತರಲಾಯಿತು. ಕಳೆದ ನಾಲ್ಕು ವರ್ಷಗಳಲ್ಲಿ ಎಸ್.ಸಿ.ಎಸ್.ಪಿ/ಟಿ.ಎಸ್.ಪಿ ಅಡಿ ಹಂಚಿಕೆ ಮಾಡಲಾದ ಅನುದಾನದ ವಿವರ ಈ ಕೆಳಗಿನಂತಿದೆ: (ರೂ. ಕೋಟಿಗಳಲ್ಲಿ) (see table below) |
| ಈ) | ಈ ಯೋಜನೆಯಡಿಯಲ್ಲಿ ಒಂದೇ ಕಾಮಗಾರಿ ಪುನರಾವರ್ತನೆ ಆಗದಂತೆ ನೋಡಿಕೊಳ್ಳಲು ಇರುವ ನಿಯಮಗಳೇನು; | ಈ ಯೋಜನೆಯಡಿಯಲ್ಲಿ ಒಂದೇ ಕಾಮಗಾರಿ ಪುನರಾವರ್ತನೆ ಆಗದಂತೆ ನೋಡಿಕೊಳ್ಳಲು ಮಾನ್ಯ ಮುಖ್ಯಮಂತ್ರಿಗಳ ಅಧ್ಯಕ್ಷತೆಯ ರಾಜ್ಯ ಅಭಿವೃದ್ಧಿ ಪರಿಷತ್‌ನಲ್ಲಿ ಅನುಮೋದನೆಗೊಂಡ ಕ್ರಿಯಾ ಯೋಜನೆಗಳಂತೆ ಅನುಷ್ಠಾನಗೊಳಿಸಲು ಎಲ್ಲಾ ಇಲಾಖೆಗಳ ಅನುಷ್ಠಾನಾಧಿಕಾರಿಗಳಿಗೆ ಸೂಚಿಸಲಾಗಿದೆ.<br><br>ಸಮಾಜ ಕಲ್ಯಾಣ ಇಲಾಖೆಯಿಂದ GPS ಆಧಾರಿತ Work Monitoring System ನ್ನು ಅಭಿವೃದ್ಧಿ ಪಡಿಸಿದ್ದು, ಕಾಮಗಾರಿಗಳು ಪುನಾರವರ್ತನೆಗೊಳ್ಳದಂತೆ ಕ್ರಮವಹಿಸಲು ಎಲ್ಲಾ ಇಲಾಖೆಗಳ ಅಧಿಕಾರಿಗಳಿಗೆ ತಿಳಿಸಲಾಗಿದೆ. |

(ರೂ. ಕೋಟಿಗಳಲ್ಲಿ)

| ವರ್ಷ | ಹಂಚಿಕೆ | | |
|---|---|---|---|
| | ಎಸ್.ಸಿ.ಎಸ್.ಪಿ | ಟಿ.ಎಸ್.ಪಿ | ಒಟ್ಟು |
| 2017-18 | 19647.58 | 8314.76 | 27962.34 |
| 2018-19 | 21028.58 | 8677.27 | 29705.85 |
| 2019-20 | 19544.77 | 7952.75 | 27497.52 |
| 2020-21 | 18131.12 | 7814.78 | 25945.90 |

| | | |
|---|---|---|
| ಉ) | ಈ ಯೋಜನೆಗೆ ಹಂಚಿಕೆಯಾದ ಹಣವನ್ನು ನಿರ್ದಿಷ್ಟ ಉದ್ದೇಶಕ್ಕೆ ಬಳಸದಿದ್ದಲ್ಲಿ ಶಿಕ್ಷಣದಂತಹ ಅಭಿವೃದ್ಧಿ ಕಾರ್ಯಕ್ರಮಗಳಿಗೆ ಉಳಿಕೆ ಅನುದಾನವನ್ನು ಬಳಕೆ ಮಾಡುವ ಕುರಿತು ಸರ್ಕಾರದ ಅಭಿಪ್ರಾಯವೇನು? | ಎಸ್.ಸಿ.ಎಸ್.ಪಿ/ಟಿ.ಎಸ್.ಪಿ ಯೋಜನೆ ಅಡಿ ಕೃಷಿ ಮತ್ತು ಸಂಬಂಧಿತ ವಲಯ, ಶಿಕ್ಷಣ, ಆರ್ಥಿಕ ಅಭಿವೃದ್ಧಿ, ಕೌಶಲ್ಯಾಭಿವೃದ್ಧಿ, ಮಹಿಳಾ ಮತ್ತು ಮಕ್ಕಳ ಅಭಿವೃದ್ಧಿ ಮತ್ತು ಮೂಲಭೂತ ಸೌಕರ್ಯಗಳಿಗೆ ಅನುದಾನವನ್ನು ಹಂಚಿಕೆ ಮಾಡುತ್ತಿದ್ದು, ರಾಜ್ಯ ಅಭಿವೃದ್ಧಿ ಪರಿಷತ್‌ನ ಅನುಮೋದಿತ ಕ್ರಿಯಾ ಯೋಜನೆಯನ್ವಯ ಅನುದಾನವನ್ನು ಬಳಕೆ ಮಾಡಲಾಗುತ್ತಿದೆ. |

**ಸಂಖ್ಯೆ: ಸಕಇ 145 ಆರ್&ಐ 2021**

**(ಕೋಟ ಶ್ರೀನಿವಾಸ ಪೂಜಾರಿ)**
ಸಮಾಜ ಕಲ್ಯಾಣ ಹಾಗೂ ಹಿಂದುಳಿದ
ವರ್ಗಗಳ ಕಲ್ಯಾಣ ಸಚಿವರು.